# ಕರ್ನಾಟಕ ವಿಧಾನಸಭೆ

ಹದಿನಾಲ್ಕನೇ ವಿಧಾನಸಭೆ
(ಒಂಬತ್ತನೇ ಅಧಿವೇಶನ)

## ಕಾರ್ಯಕಲಾಪಗಳ ಪಟ್ಟಿ

ಶನಿವಾರ, ದಿನಾಂಕ 05ನೇ ಮಾರ್ಚ್, 2016
(ಸಮಯ: ಬೆಳಗ್ಗೆ 9.45 ಗಂಟೆ)

### 1. ರಾಜ್ಯಪಾಲರ ಭಾಷಣಕ್ಕೆ ಸಂಬಂಧಿಸಿದ ವಂದನಾರ್ಪಣಾ ಪ್ರಸ್ತಾವ

"2016ರ ಫೆಬ್ರವರಿ 29ರಂದು ವಿಧಾನಮಂಡಲದ ಉಭಯ ಸದನಗಳ ಸದಸ್ಯರನ್ನುದ್ದೇಶಿಸಿ ದಯಪಾಲಿಸಿದ ಭಾಷಣಕ್ಕಾಗಿ ಈ ಅಧಿವೇಶನದಲ್ಲಿ ಸೇರಿರುವ ವಿಧಾನಸಭೆಯ ಸದಸ್ಯರಾದ ನಾವು ಮಾನ್ಯ ರಾಜ್ಯಪಾಲರಿಗೆ ಕೃತಜ್ಞತಾಪೂರ್ವಕವಾದ ವಂದನೆಗಳನ್ನು ಸಮರ್ಪಿಸಲು ಅಪ್ಪಣೆ ಕೋರುತ್ತೇವೆ" ಎಂದು ದಿನಾಂಕ 01ನೇ ಮಾರ್ಚ್ 2016ರಂದು ಶ್ರೀ ಕೆ.ಆರ್.ರಮೇಶ್‌ಕುಮಾರ್ ರವರು ಸೂಚಿಸಿದ ಪ್ರಸ್ತಾವದ ಮೇಲೆ ಮುಂದುವರೆದ ಚರ್ಚೆ ಹಾಗೂ ಸರ್ಕಾರದ ಉತ್ತರ.

### 2. ಸಭೆಯ ಮುಂದಿಡಲಾಗುವ ಕಾಗದ ಪತ್ರಗಳು

**ಶ್ರೀ ಸಿದ್ಧರಾಮಯ್ಯ (ಮುಖ್ಯಮಂತ್ರಿಗಳು) ಅವರು:-**

ಮಾರ್ಚ್ 2015ಕ್ಕೆ ಕೊನೆಗೊಂಡ ವರ್ಷಕ್ಕೆ ಭಾರತದ ಲೆಕ್ಕನಿಯಂತ್ರಕರು ಮತ್ತು ಮಹಾಲೆಕ್ಕಪರಿಶೋಧಕರು ನೀಡಿರುವ ಸಾರ್ವಜನಿಕ ವಲಯ ಉದ್ಯಮಗಳ ಮೇಲಿನ ವರದಿ (ಸಂಖ್ಯೆ-3) ಯನ್ನು ಸಭೆಯ ಮುಂದಿಡುವುದು.

### 3. ಶಾಸನ ರಚನೆ

## I. ವಿಧೇಯಕಗಳನ್ನು ಹಿಂಪಡೆಯುವುದು

1. **ಬೆಂಗಳೂರು ನೀರು ಸರಬರಾಜು ಮತ್ತು ಗ್ರಾಮಸಾರ ಚರಂಡಿ ವ್ಯವಸ್ಥೆ (ತಿದ್ದುಪಡಿ) ವಿಧೇಯಕ, 2015**

   **ಶ್ರೀ ಕೆ.ಜೆ.ಜಾರ್ಜ್ (ಬೆಂಗಳೂರು ಅಭಿವೃದ್ಧಿ ಹಾಗೂ ನಗರ ಯೋಜನಾ ಸಚಿವರು) ಅವರು:-**

   2015ನೇ ಸಾಲಿನ ಬೆಂಗಳೂರು ನೀರು ಸರಬರಾಜು ಮತ್ತು ಗ್ರಾಮಸಾರ ಚರಂಡಿ ವ್ಯವಸ್ಥೆ (ತಿದ್ದುಪಡಿ) ವಿಧೇಯಕವನ್ನು ಹಿಂಪಡೆಯಲು ಅನುಮತಿ ಕೋರುವುದು.

2. **ಕರ್ನಾಟಕ ನಗರಾಭಿವೃದ್ಧಿ ಪ್ರಾಧಿಕಾರಗಳ (ತಿದ್ದುಪಡಿ) ವಿಧೇಯಕ 2015,**

   **ಶ್ರೀ ವಿನಯ ಕುಮಾರ್ ಸೊರಕೆ (ನಗರಾಭಿವೃದ್ಧಿ ಸಚಿವರು) ಅವರು:-**

   2015ನೇ ಸಾಲಿನ ಕರ್ನಾಟಕ ನಗರಾಭಿವೃದ್ಧಿ ಪ್ರಾಧಿಕಾರಗಳ (ತಿದ್ದುಪಡಿ) ವಿಧೇಯಕವನ್ನು ಹಿಂಪಡೆಯಲು ಅನುಮತಿ ಕೋರುವುದು.

## II. ವಿಧೇಯಕಗಳನ್ನು ಮಂಡಿಸುವುದು

1. **ಕರ್ನಾಟಕ ಗಿರವಿದಾರರ (ತಿದ್ದುಪಡಿ) ವಿಧೇಯಕ, 2016**
**ಶ್ರೀ ಹೆಚ್.ಎಸ್.ಮಹದೇವ ಪ್ರಸಾದ್ (ಸಹಕಾರ ಹಾಗೂ ಸಕ್ಕರೆ ಸಚಿವರು)**

ಅ) 2016ನೇ ಸಾಲಿನ ಕರ್ನಾಟಕ ಗಿರವಿದಾರರ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು:
ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

2. **ಶ್ರೀ ಮಲೈ ಮಹದೇಶ್ವರಸ್ವಾಮಿ ಕ್ಷೇತ್ರ ಅಭಿವೃದ್ಧಿ ಪ್ರಾಧಿಕಾರ (ತಿದ್ದುಪಡಿ) ವಿಧೇಯಕ, 2016**
**ಶ್ರೀ ಮನೋಹರ.ಹೆಚ್.ತಹಶೀಲ್ದಾರ್ (ಅಬಕಾರಿ ಮತ್ತು ಮುಜರಾಯಿ ಸಚಿವರು)**

ಅ) 2016ನೇ ಸಾಲಿನ ಶ್ರೀ ಮಲೈ ಮಹದೇಶ್ವರಸ್ವಾಮಿ ಕ್ಷೇತ್ರ ಅಭಿವೃದ್ಧಿ ಪ್ರಾಧಿಕಾರ (ತಿದ್ದುಪಡಿ) ವಿಧೇಯಕವನ್ನು ಮಂಡಿಸಲು ಅನುಮತಿ ಕೋರುವುದು:
ಆ) ಹಾಗೂ ವಿಧೇಯಕವನ್ನು ಮಂಡಿಸುವುದು.

## III. ವಿಧೇಯಕಗಳನ್ನು ಪರ್ಯಾಲೋಚಿಸುವುದು ಹಾಗೂ ಅಂಗೀಕರಿಸುವುದು

1. **ಕರ್ನಾಟಕ ಲೋಕಸೇವಾ ಆಯೋಗ (ವ್ಯವಹಾರ ನಿರ್ವಹಣೆ ಮತ್ತು ಹೆಚ್ಚುವರಿ ಪ್ರಕಾರ್ಯಗಳು) (ತಿದ್ದುಪಡಿ) ವಿಧೇಯಕ, 2016**
**ಶ್ರೀ ಸಿದ್ದರಾಮಯ್ಯ (ಮುಖ್ಯಮಂತ್ರಿ) ಅವರು:-**

ಅ) 2016ನೇ ಸಾಲಿನ ಕರ್ನಾಟಕ ಲೋಕಸೇವಾ ಆಯೋಗ (ವ್ಯವಹಾರ ನಿರ್ವಹಣೆ ಮತ್ತು ಹೆಚ್ಚುವರಿ ಪ್ರಕಾರ್ಯಗಳು) (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

2. **ಬಾಲ್ಯವಿವಾಹ ನಿಷೇಧ (ಕರ್ನಾಟಕ ತಿದ್ದುಪಡಿ) ವಿಧೇಯಕ, 2016**
**ಶ್ರೀಮತಿ ಉಮಾಶ್ರೀ (ಮಹಿಳಾ ಮತ್ತು ಮಕ್ಕಳ ಕಲ್ಯಾಣ, ಕನ್ನಡ ಮತ್ತು ಸಂಸ್ಕೃತಿ ಸಚಿವರು) ಅವರು:-**

ಅ) 2016ನೇ ಸಾಲಿನ ಬಾಲ್ಯವಿವಾಹ ನಿಷೇಧ (ಕರ್ನಾಟಕ ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

3. **ಕ್ರಾಂತಿವೀರ ಸಂಗೊಳ್ಳಿ ರಾಯಣ್ಣ ಕ್ಷೇತ್ರ ಅಭಿವೃದ್ಧಿ ಪ್ರಾಧಿಕಾರ ವಿಧೇಯಕ, 2016**
**ಶ್ರೀ ಹೆಚ್.ಆಂಜನೇಯ (ಸಮಾಜ ಕಲ್ಯಾಣ ಮತ್ತು ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು) ಅವರು:-**

ಅ) 2016ನೇ ಸಾಲಿನ ಕ್ರಾಂತಿವೀರ ಸಂಗೊಳ್ಳಿ ರಾಯಣ್ಣ ಕ್ಷೇತ್ರ ಅಭಿವೃದ್ಧಿ ಪ್ರಾಧಿಕಾರ ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

4. **ಕರ್ನಾಟಕ ರಾಜ್ಯ ಅಲ್ಪಸಂಖ್ಯಾತರ ಆಯೋಗ (ತಿದ್ದುಪಡಿ) ವಿಧೇಯಕ, 2016**
**ಶ್ರೀ ಖಮರುಲ್ ಇಸ್ಲಾಂ (ಪೌರಾಡಳಿತ, ಸ್ಥಳೀಯ ಸಂಸ್ಥೆಗಳು, ಸಾರ್ವಜನಿಕ ಉದ್ದಿಮೆಗಳು ಹಾಗೂ ಅಲ್ಪಸಂಖ್ಯಾತರ ಕಲ್ಯಾಣ ಮತ್ತು ವಕ್ಫ್ ಸಚಿವರು) ಅವರು:-**

ಅ) 2016ನೇ ಸಾಲಿನ ಕರ್ನಾಟಕ ರಾಜ್ಯ ಅಲ್ಪಸಂಖ್ಯಾತರ ಆಯೋಗ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

5. **ಕರ್ನಾಟಕ ಸ್ಟಾಂಪು (ತಿದ್ದುಪಡಿ) ವಿಧೇಯಕ, 2016**
**ಶ್ರೀ ವಿ.ಶ್ರೀನಿವಾಸ ಪ್ರಸಾದ್ (ಕಂದಾಯ ಸಚಿವರು) ಅವರು:-**

ಅ) 2016ನೇ ಸಾಲಿನ ಕರ್ನಾಟಕ ಸ್ಟಾಂಪು (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

6. **ಕರ್ನಾಟಕ ಗಿರವಿದಾರರ (ತಿದ್ದುಪಡಿ) ವಿಧೇಯಕ, 2016**
**ಶ್ರೀ ಹೆಚ್.ಎಸ್.ಮಹದೇವ ಪ್ರಸಾದ್ (ಸಹಕಾರ ಹಾಗೂ ಸಕ್ಕರೆ ಸಚಿವರು)**

ಅ) 2016ನೇ ಸಾಲಿನ ಕರ್ನಾಟಕ ಗಿರವಿದಾರರ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು:
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು.

7. **ಶ್ರೀ ಮಲೈ ಮಹದೇಶ್ವರಸ್ವಾಮಿ ಕ್ಷೇತ್ರ ಅಭಿವೃದ್ಧಿ ಪ್ರಾಧಿಕಾರ (ತಿದ್ದುಪಡಿ) ವಿಧೇಯಕ, 2016**
**ಶ್ರೀ ಮನೋಹರ.ಹೆಚ್.ತಹಶೀಲ್ದಾರ್ (ಅಬಕಾರಿ ಮತ್ತು ಮುಜರಾಯಿ ಸಚಿವರು)**

ಅ) 2016ನೇ ಸಾಲಿನ ಶ್ರೀ ಮಲೈ ಮಹದೇಶ್ವರಸ್ವಾಮಿ ಕ್ಷೇತ್ರ ಅಭಿವೃದ್ಧಿ ಪ್ರಾಧಿಕಾರ (ತಿದ್ದುಪಡಿ) ವಿಧೇಯಕವನ್ನು ಪರ್ಯಾಲೋಚಿಸಬೇಕೆಂದು ಸೂಚಿಸುವುದು;
ಆ) ಹಾಗೂ ವಿಧೇಯಕವನ್ನು ಅಂಗೀಕರಿಸಬೇಕೆಂದು ಸೂಚಿಸುವುದು

## 4. ಗಮನ ಸೆಳೆಯುವ ಸೂಚನೆಗಳು

1. **ಶ್ರೀ ಪಿ.ರಾಜೀವ್** ರವರು – ರಾಯಭಾಗ ತಾಲ್ಲೂಕಿನ ಕುಡಚಿ ಮತಕ್ಷೇತ್ರ ವ್ಯಾಪ್ತಿಯಲ್ಲಿ ಬರುವ ಹಿಡಕಲ್ ಗ್ರಾಮದ ಮಣ್ಣೀಕೇರಿ ತೋಟದಲ್ಲಿ ಹೊಸ ಪ್ರೌಢಶಾಲೆ ಸ್ಥಾಪನೆಯ ಬಗ್ಗೆ ಮಾನ್ಯ ಪ್ರಾಥಮಿಕ ಹಾಗೂ ಪ್ರೌಢಶಿಕ್ಷಣ ರಾಜ್ಯ ಸಚಿವರ ಗಮನ ಸೆಳೆಯುವುದು.
2. **ಶ್ರೀ ಹೆಚ್.ಡಿ.ರೇವಣ್ಣ** ರವರು – ಹಾಸನ ಜಿಲ್ಲೆಯ ಚನ್ನರಾಯಪಟ್ಟಣದಲ್ಲಿ ಖಾಸಗಿ ಮಾರಾಟ ಮಳಿಗೆ ಪರವಾನಿಗೆದಾರರೊಂದಿಗೆ ಅಬಕಾರಿ ಅಧಿಕಾರಿಗಳು ಹಾಗೂ ಎಂ.ಎಸ್.ಐ.ಎಲ್ ಅಧಿಕಾರಿಗಳು ಶಾಮೀಲಾಗಿ ಅನಧಿಕೃತವಾಗಿ ಮಧ್ಯ ಮಾರಾಟ ಮಾಡುತ್ತಿರುವುದರಿಂದ ಸರ್ಕಾರಕ್ಕೆ ಕೊಟ್ಯಾಂತರ ರೂಪಾಯಿಗಳ ನಷ್ಟವಾಗುತ್ತಿರುವ ಬಗ್ಗೆ ಮಾನ್ಯ ಅಬಕಾರಿ ಮತ್ತು ಮುಜರಾಯಿ ಸಚಿವರ ಗಮನ ಸೆಳೆಯುವುದು.
3. **ಶ್ರೀ ಕೆ.ಗೋಪಾಲ ಪೂಜಾರಿ** ರವರು – ಉಡುಪಿ ಜಿಲ್ಲೆಯ ಕೊಲ್ಲೂರು ಶ್ರೀ ಮೂಕಾಂಬಿಕೆ ದೇವಸ್ಥಾನದಲ್ಲಿ ಭದ್ರತಾ ವೈಫಲ್ಯದಿಂದ 70 ಲಕ್ಷಕ್ಕೂ ಹೆಚ್ಚಿನ ಮೌಲ್ಯದ ಚಿನ್ನಾಭರಣಗಳು ಕಳುವಾಗಿದ್ದು, ದೇವಸ್ಥಾನ ಸಿಬ್ಬಂದಿಯು ಶಾಮೀಲಾಗಿರುವ ಬಗ್ಗೆ ಮಾನ್ಯ ಅಬಕಾರಿ ಮತ್ತು ಮುಜರಾಯಿ ಸಚಿವರ ಗಮನ ಸೆಳೆಯುವುದು.
4. **ಶ್ರೀ ಯು.ಬಿ.ಬಣಕಾರ** ರವರು – ಸರ್ಕಾರದ ಆದೇಶದನ್ವಯ ಸರ್ವಜ್ಞ ಪ್ರಾಧಿಕಾರವನ್ನು ರಚನೆ ಮಾಡಿ ಕನಿಷ್ಠ 10 ಕೋಟಿ ರೂಗಳನ್ನು ಪ್ರಾಧಿಕಾರಕ್ಕೆ ನಿಗದಿಪಡಿಸುವ ಬಗ್ಗೆ ಮಾನ್ಯ ಮುಖ್ಯಮಂತ್ರಿಗಳ ಗಮನ ಸೆಳೆಯುವುದು.
5. **ಶ್ರೀ ಗುರುಪಾದಗೌಡ ಸಂಗನಗೌಡ ಪಾಟೀಲ** ರವರು – ಕೆರೆಗಳ ಹೂಳು ತೆಗೆಸುವ ಮೂಲಕ ಗದಗ ಜಿಲ್ಲೆಯಲ್ಲಿ ಕುಡಿಯುವ ನೀರಿನ ತೊಂದರೆ ನೀಗಿಸುವ ಬಗ್ಗೆ ಮಾನ್ಯ ಸಣ್ಣ ನೀರಾವರಿ ಸಚಿವರ ಗಮನ ಸೆಳೆಯುವುದು.

6. **ಶ್ರೀ ಕೆ.ಬಿ.ಕೋಳಿವಾಡ** ರವರು – ವ್ಯಾಪಾರಸ್ಥರು ರಾಣೆಬೆನ್ನೂರು ಮಾರುಕಟ್ಟೆ ಸಮಿತಿಯ ಅಧಿಕಾರಿಗಳೊಂದಿಗೆ ಶಾಮೀಲಾಗಿ ಲಿವ್ ಮತ್ತು ಲೈಸನ್ಸ್ ಶುಲ್ಕದ ಆಧಾರದ ಮೇಲೆ ಪಡೆದುಕೊಂಡಿರುವ ಸ್ಥಳಗಳನ್ನು ನಿಯಮಗಳನ್ನು ಉಲ್ಲಂಘಿಸಿ ಉಪ ಬಾಡಿಗೆ ನೀಡಿರುವ ಬಗ್ಗೆ ಮಾನ್ಯ ಕೃಷಿ ಮಾರುಕಟ್ಟೆ ಮತ್ತು ತೋಟಗಾರಿಕೆ ಸಚಿವರ ಗಮನ ಸೆಳೆಯುವುದು.

7. **ಶ್ರೀ ಎಲ್.ಎ.ರವಿಸುಬ್ರಹ್ಮಣ್ಯ** ರವರು – ಇತ್ತೀಚೆಗೆ ಬೆಂಗಳೂರು ಜಲಮಂಡಳಿಯು ಕೊಳವೆ ಬಾವಿ ಹಾಗೂ ಬಾವಿಗಳಿರುವ ಆಸ್ತಿದಾರರಿಗೆ ಅವೈಜ್ಞಾನಿಕವಾಗಿ ಹೆಚ್ಚುವರಿಯಾಗಿ ವಿಧಿಸಿರುವ ಮಾಸಿಕ ಶುಲ್ಕದ ಆದೇಶವನ್ನು ಹಿಂಪಡೆಯುವ ಬಗ್ಗೆ ಮಾನ್ಯ ಬೆಂಗಳೂರು ಅಭಿವೃದ್ಧಿ ಮತ್ತು ನಗರ ಯೋಜನಾ ಸಚಿವರ ಗಮನ ಸೆಳೆಯುವುದು.

8. **ಶ್ರೀ ಸಿ.ಎನ್.ಬಾಲಕೃಷ್ಣ** ರವರು – ಹಾಸನ ಜಿಲ್ಲೆ, ಚನ್ನರಾಯಪಟ್ಟಣ ತಾಲ್ಲೂಕು, ಬಾಗೂರು ಹೋಬಳಿಯ ನವಿಲೆ ಏತ ನೀರಾವರಿ ಯೋಜನೆಯ ನಿರ್ಗಮನ ದ್ವಾರದಿಂದ ಕುಡಿಯುವ ನೀರಿನ ಯೋಜನೆಗಾಗಿ ಕೆಂಬಾಳು, ಬಿದರೆ, ಶಿವರ ಹಾಗೂ ಕಲ್ಲೇಸೋಮನಹಳ್ಳಿ ವ್ಯಾಪ್ತಿಯ ಕೆರೆಗಳಿಗೆ ನೀರು ಒದಗಿಸುವ ಯೋಜನೆ ವಿಳಂಬವಾಗುತ್ತಿರುವ ಬಗ್ಗೆ ಮಾನ್ಯ ಭಾರಿ ಮತ್ತು ಮಧ್ಯಮ ನೀರಾವರಿ ಸಚಿವರ ಗಮನ ಸೆಳೆಯುವುದು.

## 5. ನಿಯಮ 69ರ ಮೇರೆಗೆ ಸಾರ್ವಜನಿಕ ಮಹತ್ವದ ಜರೂರು ವಿಷಯದ ಬಗೆ ಅಲ ಕಾಲಾವಧಿ ಚರ್ಚೆ

**ಶ್ರೀಯುತರುಗಳಾದ ಆರ್.ಅಶೋಕ್, ಎಸ್.ಆರ್.ವಿಶ್ವನಾಥ್, ಅರವಿಂದ ಲಿಂಬಾವಳಿ, ಎಲ್.ಎ.ರವಿಸುಬ್ರಹ್ಮಣ್ಯ, ಬಿ.ಎನ್.ವಿಜಯಕುಮಾರ್ ಹಾಗೂ ಇತರರು** – ಬೆಂಗಳೂರು ಮಹಾನಗರ ಪಾಲಿಕೆಯ ವ್ಯಾಪ್ತಿಯ ಪ್ರದೇಶಗಳ ಕಸದ ಸಮಸ್ಯೆ, ಹೆಚ್ಚುತ್ತಿರುವ ಅಪರಾಧಗಳು, ಕುಡಿಯುವ ನೀರಿನ ಸಮಸ್ಯೆ, ಅಗತ್ಯ ಮೂಲಭೂತ ಸೌಲಭ್ಯಗಳ ಕೊರತೆ ಹಾಗೂ ವಾರ್ಡ್‌ಗಳ ಅಭಿವೃದ್ಧಿಗೆ ಸಮನಾದ ಅನುದಾನದ ತಾರತಮ್ಯ ನೀಗಿಸುವ ಬಗ್ಗೆ ಹಾಗೂ ಬೆಂಗಳೂರಿನ ಸಮಗ್ರ ಅಭಿವೃದ್ಧಿ ಕಾರ್ಯಕ್ರಮಗಳ ಬಗ್ಗೆ ನೀಡಿರುವ ಸೂಚನೆಯ ಮೇಲೆ ಚರ್ಚೆ.

## 6. ಅರ್ಧ ಗಂಟೆ ಕಾಲಾವಧಿ ಚರ್ಚೆ

1. **ಶ್ರೀ ಬಸವರಾಜ್ ಎಸ್.ಬೊಮ್ಮಾಯಿ** ಅವರು – "108 ಆಂಬುಲೆನ್ಸ್ ನೌಕರರ ಮುಷ್ಕರ"ದ ಬಗ್ಗೆ ದಿನಾಂಕ 03.03.2016 ರಂದು ಸದನದಲ್ಲಿ ಉತ್ತರಿಸುವ ಪ್ರಶ್ನೆಗಳ ಮೂರನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 35 (367)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧಗಂಟೆ ಕಾಲ ಚರ್ಚಿಸುವುದು.

2. **ಶ್ರೀ ಡಿ.ನಾಗರಾಜಯ್ಯ** ಅವರು – "ವಸತಿ ಯೋಜನೆಯಡಿ ಮನೆಗಳ ಹಂಚಿಕೆ" ಬಗ್ಗೆ ದಿನಾಂಕ 02.03.2016 ರಂದು ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆಗಳ ಎರಡನೇ ಪಟ್ಟಿಯಲ್ಲಿನ ಪ್ರಶ್ನೆ ಸಂಖ್ಯೆ: 207 (307)ಕ್ಕೆ ಒದಗಿಸಿರುವ ಉತ್ತರಕ್ಕೆ ಸಂಬಂಧಿಸಿದಂತೆ ಅರ್ಧಗಂಟೆ ಕಾಲ ಚರ್ಚಿಸುವುದು.

**ಎಸ್.ಮೂರ್ತಿ**
**ಕಾರ್ಯದರ್ಶಿ(I/c)**

ವಿಧಾನಸಭೆಯ ಕಾರ್ಯಕಲಾಪಗಳ ಪಟ್ಟಿಯನ್ನು ವೆಬ್‌ಸೈಟ್‌ನಲ್ಲಿಯೂ ಸಹ ಪಡೆದುಕೊಳ್ಳಬಹುದು.
http://kla.kar.nic.in/assembly/lob/lob.htm